ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಬುಧವಾರ, ದಿನಾಂಕ : 04 ನೇ ಮಾರ್ಚ್, 2020

ಜಿಲ್ಲಾಧಿಕಾರಿಗಳ ನ್ಯಾಯಾಲಯಗಳಲ್ಲಿ ಬಾಕಿ ಇರುವ ಪ್ರಕರಣಗಳ ಬಗ್ಗೆ

ಶ್ರೀ ಸುನೀಲ್ ಸುಬ್ರಮಣಿ ಎಂ.ಪಿ. (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

226 (211) ಮಾನ್ಯ ಕಂದಾಯ ಸಚಿವರು ಈ ವಿಷಯಗಳÀನ್ನು ದಯವಿಟ್ಟು ತಿಳಿಸುವರೆ:-

(ಅ) ಕಳೆದ ಮೂರು ವರ್ಷಗಳಿಂದ ರಾಜ್ಯದ ಜಿಲ್ಲಾಧಿಕಾರಿಗಳ ನ್ಯಾಯಾಲಯದಲ್ಲಿ ಬಾಕಿ ಇರುವ ಪ್ರಕರಣಗಳೆಷ್ಟು ; ಇವುಗಳಲ್ಲಿ ವಿಲೇವಾರಿಯಾದ ಪ್ರಕರಣಗಳೆಷ್ಟು ; (ವರ್ಷವಾರು, ಜಿಲ್ಲಾವಾರು ವಿವರ ನೀಡುವುದು)

(ಆ) ಬಾಕಿ ಇರುವ ಪ್ರಕರಣಗಳನ್ನು ಶೀಘ್ರಗತಿಯಲ್ಲಿ ವಿಲೇವಾರಿ ಮಾಡಲು ಸರ್ಕಾರದ ಕ್ರಮಗಳೇನು ; (ವಿವರ ನೀಡುವುದು)

(ಇ) ಬಾಕಿ ಇರುವ ಪ್ರಕರಣಗಳನ್ನು ಶೀಘ್ರ ವಿಲೇ ಮಾಡಲು ಲೋಕ ಅದಾಲತ್‌ಗಳನ್ನು ನಡೆಸುವ ಬಗ್ಗೆ ಸರ್ಕಾರದ ನಿಲುವೇನು ;

(ಈ) ಜಿಲ್ಲೆಗಳಲ್ಲಿ ಜಿಲ್ಲಾಧಿಕಾರಿಗಳಿಗೆ ಒತ್ತಡದ ಕೆಲಸಗಳು ಹೆಚ್ಚಿರುವುದರಿಂದ ಈ ಜಿಲ್ಲಾಧಿಕಾರಿಗಳ ನ್ಯಾಯಾಲಯಕ್ಕೆ ಬೇರೆ ಅಧಿಕಾರಿಗಳನ್ನು ನೇಮಿಸಲು ಇರುವ ತೊಡಕುಗಳೇನು ? (ವಿವರ ನೀಡುವುದು)